ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತೆರಡನೆಯ ಅಧಿವೇಶನ
ಮಂಗಳವಾರ, ದಿನಾಂಕ : 08 ನೇ ಡಿಸೆಂಬರ್, 2020

ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳು ನೀಡುತ್ತಿರುವ ಸಾಲಗಳ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

21 (122) ಸಹಕಾರ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಹಾಸನ ಜಿಲ್ಲಾ ಕೇಂದ್ರ ಸಹಕಾರ ಬ್ಯಾಂಕ್ ನಿಯಮಿತ ಮತ್ತು ಇದರ ಅಧೀನದಲ್ಲಿರುವ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳು ರೈತರಿಗೆ ಸಾಲ ವಿತರಣೆ ಮಾಡುವಾಗ ಸರ್ಕಾರದ ಮಾರ್ಗಸೂಚಿಗಳನ್ನು ಪಾಲನೆ ಮಾಡದೆ ತಾರತಮ್ಯ ನೀತಿ ಅನುಸರಿಸುತ್ತಿರುವುದರಿಂದ ರೈತರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಇಂತಹ ಎಷ್ಟು ಪ್ರಕರಣಗಳು ಬೆಳಕಿಗೆ ಬಂದಿವೆ ; ಇಂತಹ ಪ್ರಕರಣಗಳಲ್ಲಿ ಭಾಗಿಯಾಗಿರುವವರ ವಿರುದ್ಧ ಯಾವ ಕ್ರಮಗಳನ್ನು ಕೈಗೊಳ್ಳಲಾಗಿದೆ ; (ಪ್ರಕರಣವಾರು ಮಾಹಿತಿ ನೀಡುವುದು)

(ಆ) ಜಿಲ್ಲಾ ಕೇಂದ್ರ ಸಹಕಾರ ಬ್ಯಾಂಕ್ ನಿಯಮಿತ ಮತ್ತು ಇದರ ಅಧೀನದಲ್ಲಿರುವ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳಿಂದ ಯಾವ ಯಾವ ರೀತಿಯ ಸಾಲಗಳನ್ನು ರೈತರಿಗೆ ವಿತರಿಸಲಾಗುತ್ತಿದೆ ; ಈ ಸಾಲಗಳನ್ನು ನೀಡಲು ಅನುಸರಿಸುತ್ತಿರುವ ಮಾನದಂಡಗಳೇನು ; ಸಾಲ ವಿತರಣೆಯಲ್ಲಿ ಆಗುತ್ತಿರುವ ತಾರತಮ್ಯ ನಿವಾರಣೆಗೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು ; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಹಾಸನ ಜಿಲ್ಲಾ ಕೇಂದ್ರ ಸಹಕಾರ ಬ್ಯಾಂಕ್ ನಿಯಮಿತ ಮತ್ತು ಇದರ ಅಧೀನದಲ್ಲಿರುವ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳು ಕಳೆದ 3 ವರ್ಷಗಳಲ್ಲಿ ವಿವಿಧ ಯೋಜನೆಗಳಡಿ ವಿತರಣೆ ಮಾಡಿರುವ ಸಾಲದ ವಿವರಗಳನ್ನು ನೀಡುವುದು ; (ತಾಲ್ಲೂಕುವಾರು, ಹೋಬಳಿವಾರು ಮಾಹಿತಿ ನೀಡುವುದು)

(ಈ) ಚನ್ನರಾಯಪಟ್ಟಣ ತಾಲ್ಲೂಕಿನ ಕಬ್ಬಳಿ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಕ್ಕೆ ಸಾಲ ವಿತರಣೆ ಮಾಡದಿರಲು ಕಾರಣಗಳೇನು ; ಈ ಸಂಘಕ್ಕೆ ಸಾಲ ವಿತರಣೆ ಮಾಡಿದ್ದಲ್ಲಿ, ಕಳೆದ 3 ವರ್ಷಗಳಲ್ಲಿ ವಿವಿಧ ಯೋಜನೆಗಳಡಿ ವಿತರಣೆ ಮಾಡಿರುವ ಸಾಲದ ವಿವರಗಳೇನು ?